

# ಕರ್ನಾಟಕ ವಿಧಾನ ಪರಿಷತ್ತು

## ನೂರ ನಲವತ್ತ ಮೂರನೆಯ ಅಧಿವೇಶನದ ಮುಂದುವರೆದ ಉಪವೇಶನ

## ಚುಕ್ಕೆ ರಹಿತ ಪ್ರಶ್ನೆ

ದಿನಾಂಕ : 22-03-2021 ಪ್ರಶ್ನೆ ಸಂಖ್ಯೆ : 1546 (1872)

ಸದಸ್ಯರ ಹೆಸರು ಮತ್ತು ಕ್ಷೇತ್ರ : ಶ್ರೀ ಕವಟಗಿಮಠ ಮಹಾಂತೇಶ ಮಲ್ಲಿಕಾರ್ಜುನ (ಸ್ಥಳೀಯ ಸಂಸ್ಥೆಗಳ ಕ್ಷೇತ್ರ)

ಉತ್ತರ ನೀಡಬೇಕಾದ ದಿನಾಂಕ : 22-03-2021

ಉತ್ತರಿಸುವ ಸಚಿವರು : ಆರೋಗ್ಯ ಮತ್ತು ಕುಟುಂಬ ಕಲ್ಯಾಣ ಹಾಗೂ ವೈದ್ಯಕೀಯ ಶಿಕ್ಷಣ ಸಚಿವರು

ವಿಷಯ : ಪ್ರಾಥಮಿಕ ಆರೋಗ್ಯ ಕೇಂದ್ರಗಳನ್ನು ಮೇಲ್ದರ್ಜೆಗೇರಿಸುವ ಬಗ್ಗೆ

(ಅ) ಗ್ರಾಮೀಣ ಪ್ರದೇಶಗಳಲ್ಲಿರುವ ಪ್ರಾಥಮಿಕ ಆರೋಗ್ಯ ಕೇಂದ್ರಗಳನ್ನು ಮೇಲ್ದರ್ಜೆಗೇರಿಸುವ ನಗರಗಳಂತೆ ದಿನದ 24 ಗಂಟೆಯೂ ಗ್ರಾಮೀಣ ಜನತೆಗೆ ಆರೋಗ್ಯ ಸೇವೆ ನೀಡುವ ಚಿಂತನೆ ಸರ್ಕಾರಕ್ಕಿದೆಯೇ;

(ಆ) ಹಾಗಿದ್ದಲ್ಲಿ, ಗ್ರಾಮೀಣ ಪ್ರದೇಶದ ಜನತೆ ತಾಲ್ಲೂಕು ಆಸ್ಪತ್ರೆಗಳಿಗೆ, ಜಿಲ್ಲಾ ಆಸ್ಪತ್ರೆಗಳಿಗೆ ಅಲೆದಾಡುವುದನ್ನು ತಪ್ಪಿಸುವ ನಿಟ್ಟಿನಲ್ಲಿ ಗ್ರಾಮೀಣ ಆಸ್ಪತ್ರೆಗಳನ್ನು ಉನ್ನತೀಕರಿಸುವ ಯಾವ ಯಾವ ಯೋಜನೆಗಳನ್ನು ಸರ್ಕಾರ ಹಮ್ಮಿಕೊಂಡಿದೆ; (ವಿವರ ಒದಗಿಸುವುದು)

(ಇ) ಬೆಳಗಾವಿ ಜಿಲ್ಲೆಯಲ್ಲಿ ಎಷ್ಟು ಗ್ರಾಮೀಣ ಪ್ರಾಥಮಿಕ ಆಸ್ಪತ್ರೆಗಳಿವೆ; ಅವುಗಳಿಗೆ ಮಂಜೂರಾದ ಒಟ್ಟು ವೈದ್ಯರ ಹುದ್ದೆಗಳೆಷ್ಟು; ಅವುಗಳಲ್ಲಿ ಭರ್ತಿಯಾಗಿ ಕಾರ್ಯನಿರ್ವಹಿಸುತ್ತಿರುವ ವೈದ್ಯರುಗಳೆಷ್ಟು; ಖಾಲಿ ಇರುವ ಹುದ್ದೆಗಳೆಷ್ಟು; (ಸಂಪೂರ್ಣ ವಿವರ ಒದಗಿಸುವುದು)

(ಈ) ಗ್ರಾಮೀಣ ಪ್ರದೇಶಗಳಲ್ಲಿ ವೈದ್ಯರುಗಳನ್ನು ಉಳಿಸಿಕೊಳ್ಳು ವ ನಿಟ್ಟಿನಲ್ಲಿ ಏನೆಲ್ಲಾ ಕ್ರಮಗಳನ್ನು ಸರ್ಕಾರ ತೆಗೆದುಕೊಂಡಿದೆ;

(ಉ) ಗ್ರಾಮೀಣ ಪ್ರದೇಶಗಳ ಪ್ರಾಥಮಿಕ ಆರೋಗ್ಯ ಕೇಂದ್ರಗಳನ್ನು ಯಾವ ಕಾಲಮಿತಿಯಲ್ಲಿ ಮೇಲ್ದರ್ಜೆಗೇರಿಸಲು ಕ್ರಮವಹಿಸಲಾಗುವುದು?